

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1579
ಸದಸ್ಯರ ಹೆಸರು : ಶ್ರೀ ಅರುಣ ಶಹಾಪುರ
ಉತ್ತರಿಸುವ ದಿನಾಂಕ : 11-03-2022
ಉತ್ತರಿಸುವ ಸಚಿವರು : ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕರ್ನಾಟಕ ವಸತಿ ಶಿಕ್ಷಕರ ಸಹಕಾರ ಸಂಘದ ಸಹಕಾರ ವಸತಿ ಶಾಲೆಗಳ ಸಿಬ್ಬಂದಿಗಳನ್ನು ಶಿಕ್ಷಣ ಇಲಾಖೆಯ ಮಾದರಿಯಲ್ಲಿ ಕೌನ್ಸಿಲಿಂಗ್ ಮೂಲಕ ವರ್ಗಾವಣೆ ಮಾಡಲು ನಿಯಮಗಳನ್ನು ರೂಪಿಸಲಾಗುತ್ತಿದೆಯೇ; ಈ ಕಾರ್ಯವು ಯಾವ ಹಂತದಲ್ಲಿದೆ; | 2019-20ನೇ ಸಾಲಿನಲ್ಲಿ ಸರ್ಕಾರದ ಆದೇಶ ಸಂಖ್ಯೆ: ಸಕಇ 19 ಮೊದೇಶಾ 2019, ದಿನಾಂಕ: 06.07.2019 ರ ವರ್ಗಾವಣೆ ಮಾರ್ಗಸೂಚಿಯನ್ವಯ ಸಂಘದ ವಸತಿ ಶಾಲೆಗಳ ಸಿಬ್ಬಂದಿಗಳಿಗೆ ಕೌನ್ಸಿಲಿಂಗ್ ಮುಖಾಂತರ ವರ್ಗಾವಣೆ ಪ್ರಕ್ರಿಯೆಯನ್ನು ಕೈಗೊಳ್ಳಲಾಗಿರುತ್ತದೆ. |
| ಆ) | ಹೌದಾದರೆ ಈ ನಿಯಮಗಳು ಪ್ರತಿ ವರ್ಷ ಅನ್ವಯವಾಗುವಂತೆ ರೂಪಿಸಲಾಗುತ್ತಿದೆಯೇ; ಯಾವ ವರ್ಷದಿಂದ ಈ ವರ್ಗಾವಣೆ ಪ್ರಕ್ರಿಯೆಯನ್ನು ಕೌನ್ಸೆಲಿಂಗ್ ಮೂಲಕ ಮಾಡಲಾಗುವುದು? (ವಿವರಣೆ ನೀಡುವುದು) | ಮೇಲ್ಕಂಡ ಆದೇಶದನ್ವಯ 2020-21 ಹಾಗೂ 2021-22ನೇ ಸಾಲುಗಳಲ್ಲಿ ಕೋವಿಡ್-19 ಸಾಂಕ್ರಾಮಿಕ ರೋಗ ಹರಡುವಿಕೆ ಹಿನ್ನೆಲೆಯಲ್ಲಿ ಸಂಘದ ವತಿಯಿಂದ ಕೌನ್ಸಿಲಿಂಗ್ ಮುಖಾಂತರ ವರ್ಗಾವಣೆ ಪ್ರಕ್ರಿಯೆಯನ್ನು ಕೈಗೊಳ್ಳಲು ಸಾಧ್ಯವಾಗಿರುವುದಿಲ್ಲ.<br><br>ವರ್ಗಾವಣೆ ಮಾರ್ಗಸೂಚಿಯನ್ನು ಸಿದ್ಧಪಡಿಸಲು ಆಯುಕ್ತರು, ಸಮಾಜ ಕಲ್ಯಾಣ ಇಲಾಖೆ ಇವರ ಅಧ್ಯಕ್ಷತೆಯಲ್ಲಿ ಸಮಿತಿಯನ್ನು ರಚಿಸಲಾಗಿರುತ್ತದೆ.<br><br>2022-23ನೇ ಸಾಲಿನಿಂದ ಸಂಘದ ಖಾಯಂ ಬೋಧಕ/ ಬೋಧಕೇತರ ಸಿಬ್ಬಂದಿಗಳ ವರ್ಗಾವಣೆ ಸಂಬಂಧ ಕರಡು ವರ್ಗಾವಣೆ ಮಾರ್ಗಸೂಚಿಯನ್ನು ಸಿದ್ಧಪಡಿಸಲಾಗಿದ್ದು, ಸಂಘದ ಖಾಯಂ ಬೋಧಕ/ ಬೋಧಕೇತರ ಸಿಬ್ಬಂದಿ ಪ್ರತಿನಿಧಿಗಳ ಸಭೆಯನ್ನು ಕರೆದು ಚರ್ಚಿಸಿ, ಮಾದರಿ ವರ್ಗಾವಣೆ ಮಾರ್ಗಸೂಚಿಯನ್ನು ಅಂತಿಮಗೊಳಿಸಿ, ತದನಂತರ ಕ್ರಮವಹಿಸಲಾಗುವುದು. |

ಸಂಖ್ಯೆ: ಸಕಇ 145 ಮೊದೇಶಾ 2022

(ಕೋಟ ಶ್ರೀನಿವಾಸ ಪೂಜಾರಿ)
ಸಮಾಜ ಕಲ್ಯಾಣ ಮತ್ತು
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.